# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 589
ಉತ್ತರಿಸಬೇಕಾದ ದಿನಾಂಕ : 17.12.2021
ಸದಸ್ಯರ ಹೆಸರು : ಶ್ರೀ ಪ್ರಕಾಶ್ ಕೆ. ರಾಥೋಡ (ನಾಮ ನಿರ್ದೇಶನ ಹೊಂದಿದವರು)
ಉತ್ತರಿಸುವ ಸಚಿವರು : ಮಾನ್ಯ ರೇಷ್ಮೆ, ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು.

| ಕ್ರ. ಸ. | ಪ್ರಶ್ನೆ | ಉತ್ತರ |
|---|---|---|
| ಅ) | ವಿಜಯಪುರ ಜಿಲ್ಲೆಯಲ್ಲಿ ಇರುವ ಒಟ್ಟು ಒಳಾಂಗಣ ಹಾಗೂ ಹೊರಾಂಗಣ ಕ್ರೀಡಾಂಗಣಗಳೆಷ್ಟು; | ವಿಜಯಪುರ ಜಿಲ್ಲೆಯಲ್ಲಿ ಒಂದು(01) ಒಳಾಂಗಣ ಹಾಗೂ ಮೂರು(03) ಹೊರಾಂಗಣ ಕ್ರೀಡಾಂಗಣಗಳು ಇವೆ. |
| ಆ) | ಜಿಲ್ಲೆಯಲ್ಲಿ ಕ್ರೀಡೆಗಳನ್ನು ಉತ್ತೇಜಿಸಲು ಸರ್ಕಾರವು ಕೈಗೊಂಡಿರುವ ಕ್ರಮಗಳೇನು? (ಸಂಪೂರ್ಣ ವಿವರ ನೀಡುವುದು) | ವಿಜಯಪುರದಲ್ಲಿ ಸಿಂಥೆಟಿಕ್ ಅಥ್ಲೆಟಿಕ್ ಟ್ರ್ಯಾಕ್ ಒಳಗೊಂಡಂತೆ ಆಧುನಿಕ ಜಿಲ್ಲಾ ಕ್ರೀಡಾಂಗಣ, ಒಳಾಂಗಣ ಕ್ರೀಡಾಂಗಣ ಹಾಗೂ ಈಜುಕೊಳಗಳನ್ನು ನಿರ್ಮಿಸಲಾಗಿದ್ದು, ಕ್ರೀಡಾಪಟುಗಳು ಬಳಕೆ ಮಾಡುತ್ತಿದ್ದಾರೆ. ಕ್ರೀಡಾ ಪ್ರತಿಭೆಗಳನ್ನು ಗುರುತಿಸಲು ಪ್ರತಿ ವರ್ಷ ವಿವಿಧ ಹಂತದಲ್ಲಿ ಕ್ರೀಡಾ ವಸತಿ ನಿಲಯದ ಆಯ್ಕೆ ಶಿಬಿರಗಳನ್ನು ಆಯೋಜಿಸಲಾಗುತ್ತಿದ್ದು, ಪ್ರತಿಭಾನ್ವಿತ ಕ್ರೀಡಾಪಟುಗಳಿಗೆ ಕ್ರೀಡಾ ವಸತಿ ನಿಲಯಗಳಿಗೆ ಪ್ರವೇಶ ನೀಡಲಾಗುತ್ತಿದೆ. ವಿಜಯಪುರದಲ್ಲಿ ಸೈಕ್ಲಿಂಗ್ ಹಾಗೂ ಬಾಸ್ಕೆಟ್‌ಬಾಲ್ ಕ್ರೀಡೆಗಳಲ್ಲಿ ತರಬೇತಿ ನೀಡಲಾಗುತ್ತಿದೆ. ಕ್ರೀಡಾ ವಸತಿ ನಿಲಯಗಳಲ್ಲಿ ಕ್ರೀಡಾಪಟುಗಳಿಗೆ ಉಚಿತ ವಸತಿ, ಊಟೋಪಹಾರ, ಕ್ರೀಡಾ ತರಬೇತಿ ಕ್ರೀಡಾಕೂಟಗಳಲ್ಲಿ ಭಾಗವಹಿಸಲು ಪ್ರಯಾಣ ಭತ್ಯೆ/ದಿನಭತ್ಯೆ ನೀಡಲಾಗುತ್ತಿದೆ. ಉತ್ತಮ ಸಾಧನೆ ದಾಖಲಿಸುವ ಕ್ರೀಡಾ ವಸತಿ ನಿಲಯದ ಕ್ರೀಡಾಪಟುಗಳಿಗೆ ವಿಶೇಷ ಪ್ರೋತ್ಸಾಹಧನ ನೀಡಲಾಗುತ್ತಿದೆ. ಅಲ್ಲದೇ, ಕ್ರೀಡಾ ವಿದ್ಯಾರ್ಥಿ ವೇತನ, ಶೈಕ್ಷಣಿಕ ಶುಲ್ಕ ಮರುಪಾವತಿ, ಪದಕ ವಿಜೇತ ಕ್ರೀಡಾಪಟುಗಳಿಗೆ ನಗದು ಪುರಸ್ಕಾರ, ಪರಿಶಿಷ್ಟ ಜಾತಿ ಮತ್ತು ಪಂಗಡದ ಪ್ರತಿಭಾನ್ವಿತ ಕ್ರೀಡಾಪಟುಗಳಿಗೆ ವಿಶೇಷ ನಗದು ಪುರಸ್ಕಾರಗಳನ್ನು ನೀಡಲಾಗುತ್ತಿದೆ. |

**ವೈಎಸ್‌ಡಿ/ಇಬಿಬಿ/200/2021**

(ಡಾ. ನಾರಾಯಣ ಗೌಡ)
ರೇಷ್ಮೆ, ಯುವಸಬಲೀಕರಣ ಮತ್ತು
ಕ್ರೀಡಾ ಸಚಿವರು